ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಶ್ರೀರಂಗಪಟ್ಟಣದ ಪಶ್ಚಿಮವಾಹಿನಿ ಕ್ಷೇತ್ರದಲ್ಲಿ ಸ್ವಚ್ಛತೆ ಹಾಗೂ ನೈರ್ಮಲ್ಯ ಕಾಪಾಡುವ ಬಗ್ಗೆ

ಶ್ರೀ ಎಸ್. ನಾಗರಾಜ (ಸಂದೇಶ್ ನಾಗರಾಜ್) (ಸ್ಥಳೀಯ ಸಂಸ್ಥೆಗಳಿಂದ ಚುನಾಯಿತರಾದವರು):-

158 (193) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಶ್ರೀರಂಗಪಟ್ಟಣದ ಪಶ್ಚಿಮವಾಹಿನಿ ಕ್ಷೇತ್ರಕ್ಕೆ ಪ್ರತಿದಿನ ನೂರಾರು ಜನರು ಪುಣ್ಯ ಕಾರ್ಯ ಮತ್ತು ಅಪರ ಕರ್ಮಾಂತರಗಳನ್ನು ನಡೆಸಲು ಬರುತ್ತಿದ್ದು, ಕ್ಷೇತ್ರ, ನದಿ ದಂಡೆ, ನದಿ ಇವುಗಳಲ್ಲಿ ಸ್ವಚ್ಛತೆ ಇಲ್ಲದೆ, ತ್ಯಾಜ್ಯಗಳ ರಾಶಿ ಬಿದ್ದಿದ್ದು, ಅನೈರ್ಮಲ್ಯಕರ, ಅಶುಚಿಕರ ವಾತಾವರಣ ನಿರ್ಮಾಣವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ಕ್ಷೇತ್ರಕ್ಕೆ ಕರ್ಮಾಂತರಗಳನ್ನು ನಡೆಸಲು ಬರುವವರಿಗೆ ಶುಲ್ಕ ವಿಧಿಸಲಾಗುತ್ತಿದೆಯೇ; ಎಷ್ಟು ಶುಲ್ಕ ವಿಧಿಸಲಾಗುತ್ತಿದೆ; ಇದರಿಂದ ಪುರಸಭೆಗೆ ಬರುತ್ತಿರುವ ಆದಾಯ ಎಷ್ಟು;

(ಇ) ಈ ಕ್ಷೇತ್ರದ ಸ್ವಚ್ಛತೆ ಮತ್ತು ಅಭಿವೃದ್ದಿಗೆ ಪುರಸಭೆಯವರು ಸೂಕ್ತ ಕ್ರಮ ತೆಗೆದುಕೊಂಡು ಸಾರ್ವಜನಿಕರಿಗೆ ಅನುಕೂಲ ಕಲ್ಪಿಸಿ, ನೈರ್ಮಲ್ಯವನ್ನು ಕಾಪಾಡಲು ಕ್ರಮ ತೆಗೆದುಕೊಳ್ಳುವರೆ; ಈ ಕ್ಷೇತ್ರಕ್ಕೆ ಹೆಚ್ಚುವರಿಯಾಗಿ ಸ್ವಚ್ಛತಾ ಸಿಬ್ಬಂದಿಯನ್ನು ನೇಮಿಸಿಕೊಂಡು ಸ್ವಚ್ಛತೆ ಕಾಪಾಡಲು ಕ್ರಮ ತೆಗೆದುಕೊಳ್ಳಲಾಗುವುದೇ?